ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಇಲಾಖೆ ಕಾಮಗಾರಿಗಳ ಬಗ್ಗೆ

ಶ್ರೀ ಎಂ. ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

423(532) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕರ್ನಾಟಕ ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಯೋಜನೆಯ ಅನುದಾನದಡಿ ಗ್ರಾಮೀಣ ಭಾಗದಲ್ಲಿ ಕೈಗೊಳ್ಳುತ್ತಿರುವ ಕಾಮಗಾರಿಗಳು ಯಾವುವು; (ವಿವರ ನೀಡುವುದು)

(ಆ) ಹಾಸನ ಜಿಲ್ಲೆಯಲ್ಲಿ ಕಳೆದ 3 ವರ್ಷಗಳಲ್ಲಿ ಕೈಗೊಂಡಿರುವ ಕಾಮಗಾರಿಗಳು ಯಾವುವು; ಈ ಕಾಮಗಾರಿಗಳಿಗೆ ಮಂಜೂರಾದ ಅನುದಾನವೆಷ್ಟು; ಖರ್ಚಾದ ಅನುದಾನವೆಷ್ಟು; ಈ ಕಾಮಗಾರಿಗಳು ಯಾವ ಹಂತದಲ್ಲಿವೆ; (ಗುತ್ತಿಗೆದಾರರ ವಿವರಗಳೊಂದಿಗೆ ಮಾಹಿತಿ ನೀಡುವುದು)

(ಇ) ಹಾಸನ ಜಿಲ್ಲೆಯಲ್ಲಿ ಕರ್ನಾಟಕ ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಯೋಜನೆಯಡಿ ನಿರ್ವಹಿಸಲಾಗುತ್ತಿರುವ ಕಾಮಗಾರಿಗಳು ವಿಳಂಬವಾಗುತ್ತಿರುವುದರಿಂದ ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ನೆನೆಗುದಿಗೆ ಬಿದ್ದಿರುವ ಕಾಮಗಾರಿಗಳು ಯಾವುವು; ಸದರಿ ಕಾಮಗಾರಿಗಳನ್ನು ಯಾವ ಕಾಲಮಿತಿಯೊಳಗೆ ಪೂರ್ಣಗೊಳಿಸಲಾಗುವುದು? (ಸಂಪೂರ್ಣ ವಿವರ ನೀಡುವುದು)